ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ಶಿವಮೊಗ್ಗ ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಆಶ್ರಯ ಮನೆ ನೀಡಲು ಅರ್ಜಿಗಳನ್ನು ಆಹ್ವಾನಿಸಿರುವ ಬಗ್ಗೆ

ಶ್ರೀ ಆರ್.ಪ್ರಸನ್ನ ಕುಮಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

212 (246) ಮಾನ್ಯ ವಸತಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಶಿವಮೊಗ್ಗ ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಆಶ್ರಯ ಮನೆಗಳನ್ನು ಹಂಚಿಕೆ ಮಾಡಲು ಅರ್ಜಿಗಳನ್ನು ಆಹ್ವಾನಿಸಲಾಗಿದೆಯೇ; ಆಗಿದ್ದಲ್ಲಿ, ಸರ್ಕಾರ ತೆಗೆದುಕೊಂಡ ಕ್ರಮಗಳೇನು; ಅರ್ಜಿ ಹಾಕದವರಿಗೆ ಮತ್ತೆ ಅವಕಾಶವಿದೆಯೇ;

(ಆ) ಶಿವಮೊಗ್ಗ ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಅರ್ಜಿ ಸಲ್ಲಿಸಿ ಆಯ್ಕೆಯಾದಂತಹ ಫಲಾನುಭವಿಗಳಲ್ಲಿ 80,000 ರೂ.ಗಳ ಹಣವನ್ನು ಪಾವತಿಸಿರುವರ ಸಂಖ್ಯೆ ಎಷ್ಟು;

(ಇ) ಯಾವ ದಿನಾಂಕದಂದ ಹಣವನ್ನು ಪಾವತಿಸಿರುತ್ತಾರೆ;

(ಈ) ಆಶ್ರಯ ಮನೆಗಳ ಕಾಮಗಾರಿಗಳು ಪ್ರಾರಂಭವಾಗಿವೆಯೇ; ಆಗದಿದ್ದಲ್ಲಿ, ಹಣ ಸಂದಾಯ ಮಾಡಿರುವವರಿಗೆ ಯಾವ ಕಾಲಮಿತಿಯೊಳಗೆ ಮನೆಗಳನ್ನು ಹಂಚಿಕೆ ಮಾಡಲಾಗುವುದು;

(ಉ) ಈ ಯೋಜನೆಗೆ ಸರ್ಕಾರದಿಂದ ಬಿಡುಗಡೆಯಾದ ಅನುದಾನವೆಷ್ಟು?